# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ: | 733 |
| ಮಾನ್ಯ ಸದ್ಯಸರ ಹೆಸರು: | ಶ್ರೀ ಎಸ್. ನಾಗರಾಜು (ಸಂದೇಶ್ ನಾಗರಾಜು) (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) |
| ಉತ್ತರಿಸಬೇಕಾದವರು: | ಅಬಕಾರಿ ಸಚಿವರು. |
| ಉತ್ತರಿಸಬೇಕಾದ ದಿನಾಂಕ: | 12–03–2020 |

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ಗುಂಡ್ಲುಪೇಟೆ ತಾಲ್ಲೂಕು, ಬೇಗೂರು ಗ್ರಾಮ ಪಂಚಾಯತಿ ವ್ಯಾಪ್ತಿಯ ಸುತ್ತಮುತ್ತಲ ಕಾಡಂಚಿನ ಸುಮಾರು ಹತ್ತಾರು ಗ್ರಾಮಗಳಲ್ಲಿ ಅಕ್ರಮ ಮದ್ಯ ಮಾರಾಟವಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಇದನ್ನು ತಡೆಗಟ್ಟಲು ಕ್ರಮ ತೆಗೆದುಕೊಳ್ಳಲಾಗುವುದೇ; | ಗುಂಡ್ಲುಪೇಟೆ ತಾಲ್ಲೂಕು, ಬೇಗೂರು ಗ್ರಾಮ ಪಂಚಾಯ್ತಿ ವ್ಯಾಪ್ತಿಯ ಸುತ್ತಮುತ್ತಲ ಕಾಡಂಚಿನ ಗ್ರಾಮಗಳಲ್ಲಿ ಕೆಲವು ವ್ಯಕ್ತಿಗಳು ಸ್ವಲಾಭಕ್ಕಾಗಿ ಅನಧಿಕೃತವಾಗಿ ಮದ್ಯ ಮಾರಾಟ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿರುತ್ತದೆ.<br>ಇಂತಹ ಪ್ರಕರಣಗಳನ್ನು ತಡೆಗಟ್ಟುವ ನಿಟ್ಟಿನಲ್ಲಿ ಅಬಕಾರಿ ಕಾಯ್ದೆ ಮತ್ತು ತತ್ಸಂಬಂಧ ನಿಯಮಗಳ ಜಾರಿಗೊಳಿಸುವಿಕೆ ಕ್ರಮಗಳನ್ನು ಚುರುಕುಗೊಳಿಸಲಾಗಿದೆ. ಅಕ್ರಮವಾಗಿ ಮದ್ಯ ಮಾರಾಟ ಮಾಡುವವರ ವಿರುದ್ಧ ಅಬಕಾರಿ ಕಾಯ್ದೆಯ ಅಡಿಯಲ್ಲಿ ಪ್ರಕರಣಗಳನ್ನು ದಾಖಲಿಸಲಾಗುತ್ತಿದೆ. ಜಿಲ್ಲಾಧಿಕಾರಿಗಳ ನೇತೃತ್ವದಲ್ಲಿ 2 ತಿಂಗಳಿಗೊಮ್ಮೆ ನಡೆಯುವ ಸಮನ್ವಯ ಸಮಿತಿ ಸಭೆಯಲ್ಲಿ ಅಬಕಾರಿ ಅಕ್ರಮಗಳನ್ನು ತಡೆಗಟ್ಟುವ ಕುರಿತು ಅಗತ್ಯ ನಿರ್ದೇಶನಗಳನ್ನು ನೀಡಲಾಗುತ್ತಿದೆ. ಅಬಕಾರಿ ಇಲಾಖೆಯ ಸಿಬ್ಬಂದಿಯು ಸದಾ ಕಾಲ ಜಾಗೃತರಾಗಿದ್ದು ನಿರಂತರ ದಾಳಿ ಕಾರ್ಯ ನಡೆಸಿ ಅಕ್ರಮ ಮದ್ಯ ಮಾರಾಟವಾಗದಂತೆ ಎಚ್ಚರ ವಹಿಸುವಂತೆ ನಿರ್ದೇಶಿಸಲಾಗಿದೆ. |
| ಆ) | ಈ ಗ್ರಾಮಗಳಲ್ಲಿ ಹೆಚ್ಚಾಗಿ ಪರಿಶಿಷ್ಟ ಜಾತಿ, ಪರಿಶಿಷ್ಟ ವರ್ಗ, ಗಿರಿಜನರು ವಾಸಿಸುತ್ತಿದ್ದು, ಯುವಕರು, ವಿದ್ಯಾರ್ಥಿಗಳು ಕುಡಿತದ ಚಟಕ್ಕೆ ಬಿದ್ದು, ಅಕ್ರಮ ಮದ್ಯ ಸೇವಿಸಿ ಅಪಾಯಕ್ಕೀಡಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಕೂಡಲೇ ಇದನ್ನು ನಿಲ್ಲಿಸಲು ಕ್ರಮ ಜರುಗಿಸಲಾಗುವುದೇ? | ಅಕ್ರಮ ಮದ್ಯ ಸೇವನೆಯಿಂದ ಸಾರ್ವಜನಿಕರು ಅಪಾಯಕ್ಕೀಡಾಗುವುದನ್ನು ತಡೆಗಟ್ಟುವ ನಿಟ್ಟನಲ್ಲಿ ಅಬಕಾರಿ ಇಲಾಖೆಯ ಕಾರ್ಯನಿರ್ವಾಹಕ ಸಿಬ್ಬಂದಿಗಳು ನಿರಂತರವಾಗಿ ಗ್ರಾಮಸಭೆಯನ್ನು ಆಯೋಜಿಸಿ ಅಕ್ರಮ ಮದ್ಯ ಸೇವನೆಯಿಂದಾಗುವ ದುಷ್ಪರಿಣಾಮಗಳ ಬಗ್ಗೆ ವಿಶೇಷವಾಗಿ ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡದ ಜನರಲ್ಲಿ ಅರಿವು ಮೂಡಿಸುವುದರ ಜೊತೆಗೆ ಅಕ್ರಮ ಮದ್ಯ ಮಾರಾಟ ಮಾಡುವವರ ವಿರುದ್ಧ ಮಾಹಿತಿಯನ್ನು ನೀಡುವಂತೆ ಕರ್ನಾಟಕ ಅಬಕಾರಿ ಕಾಯ್ದೆ, 1965 ರ ಕಲಂ 50 ರನ್ವಯ ಜನಪ್ರತಿನಿಧಿಗಳು, ಸರ್ಕಾರಿ ನೌಕರರು ಹಾಗೂ ಜಮೀನು/ಕಟ್ಟಡ ಮಾಲೀಕರಿಗೆ ನೋಟಿಸನ್ನು ನೀಡಲಾಗುತ್ತಿದೆ. ಈ ಚಟುವಟಿಕೆಗಳನ್ನು ನಿರಂತರವಾಗಿ ಕೈಗೊಳ್ಳಲಾಗುತ್ತಿದೆ. |

11/3/20

(ಎಚ್. ನಾಗೇಶ್)
ಅಬಕಾರಿ ಸಚಿವರು

ಆಇ 18 ಇ.ಎಲ್.ಕ್ಯೂ. 2020